

# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 765
ಸದಸ್ಯರ ಹೆಸರು : ಶ್ರೀ ಅರುಣ ಶಹಾಪುರ.
ಉತ್ತರಿಸಬೇಕಾದ ದಿನಾಂಕ : 17-09-2021
ಉತ್ತರಿಸುವ ಸಚಿವರು : ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘ (ಕ್ರೈಸ್)ವನ್ನು ನಿರ್ದೇಶನಾಲಯ ಮಾಡುವ ಕುರಿತು ಸರ್ಕಾರದ ಸ್ಪಷ್ಟ ನಿಲುವೇನು; ಇರುವ ಕಾನೂನು ಅಡೆತಡೆಗಳೇನು; ನಿರ್ದೇಶನಾಲಯ ಮಾಡಲು ಆರ್ಥಿಕ ಹೊರೆಯಾಗುವ ಸಂದರ್ಭವಿದ್ದಲ್ಲಿ ಎಷ್ಟು ಆರ್ಥಿಕ ಹೊರೆ ಆಗಬಹುದು; (ಸಂಪೂರ್ಣ ವಿವರ ನೀಡುವುದು) | ಕರ್ನಾಟಕ ಸಂಘಗಳ ನೊಂದಣಿ ಕಾಯ್ದೆ 1960 ರನ್ವಯ ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘವನ್ನು ಸ್ಥಾಪಿಸಲಾಗಿದ್ದು, ಈ ಸಂಘವು ಸರ್ಕಾರದ ನಿರ್ದೇಶನ ಮತ್ತು ಮಾರ್ಗಸೂಚಿಗಳಂತೆ ವಸತಿ ಶಾಲೆಗಳನ್ನು ಪರಿಣಾಮಕಾರಿಯಾಗಿ ನಿರ್ವಹಿಸಿ ಪರಿಶಿಷ್ಟ ಜಾತಿ, ಪರಿಶಿಷ್ಟ ಪಂಗಡ ಮತ್ತು ಹಿಂದುಳಿದ ವರ್ಗಗಳ ವಿದ್ಯಾರ್ಥಿಗಳಿಗೆ ಉತ್ತಮವಾದ ಶಿಕ್ಷಣ ಒದಗಿಸುತ್ತಿದೆ. ಈ ಹಿನ್ನೆಲೆಯಲ್ಲಿ ಸಂಘವನ್ನು ಕರ್ನಾಟಕ ವಸತಿ ಶಿಕ್ಷಣ ನಿರ್ದೇಶನಾಲಯವನ್ನಾಗಿ ಮಾರ್ಪಡಿಸುವ ಅವಶ್ಯಕತೆ ಕಂಡುಬರುವುದಿಲ್ಲ. |
| ಆ) | ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದಡಿ ನಡೆಯುತ್ತಿರುವ ಮೊರಾರ್ಜಿ ದೇಸಾಯಿ ವಸತಿ ಶಾಲೆಗಳು, ಕಿತ್ತೂರು ರಾಣಿ ಚೆನ್ನಮ್ಮ ಶಾಲೆಗಳು, ಇಂದಿರಾಗಾಂಧಿ ವಸತಿ ಶಾಲೆಗಳು, ಅಂಬೇಡ್ಕರ್ ವಸತಿ ಶಾಲೆಗಳು, ಏಕಲವ್ಯ ವಸತಿ ಶಾಲೆಗಳು, ಅಟಲ್ ಬಿಹಾರಿ ವಾಜಪೇಯಿ ವಸತಿ ಶಾಲೆಗಳು ಸಂಘದಡಿ ನಡೆಯುತ್ತಿರುವ ಇನ್ನಿತರೆ ವಸತಿ ಶಾಲೆಗಳನ್ನು ನಿರ್ದೇಶನಾಲಯದಡಿ ತರುವ ಪ್ರಸ್ತಾವನೆಯು ಸರ್ಕಾರದ ಮುಂದೆ ಇದೆಯೇ? | |

ಸಂಖ್ಯೆ: ಸಕಇ 386 ಮೊದೇಶಾ 2021

(ಕೋಟ ಶ್ರೀನಿವಾಸ ಪೂಜಾರಿ)
ಸಮಾಜ ಕಲ್ಯಾಣ ಮತ್ತು
ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು